


# ಕರ್ನಾಟಕ ವಿಧಾನಪರಿಷತ್ತು

ನೂರ ನಲವತ್ತ ಮೂರನೆಯ ಅಧಿವೇಶನದ ಮುಂದುವರೆದ ಉಪವೇಶನ

**ಚುಕ್ಕೆ ಗುರುತಿನ ಪ್ರಶ್ನೆ**

ದಿನಾಂಕ : 18-03-2021 ಪ್ರಶ್ನೆ ಸಂಖ್ಯೆ : 218(1600)

ಸದಸ್ಯರ ಹೆಸರು ಮತ್ತು ಕ್ಷೇತ್ರ : ಶ್ರೀ ಕವಟಗಿಮಠ ಮಹಾಂತೇಶ ಮಲ್ಲಿಕಾರ್ಜುನ(ಸ್ಥಳೀಯ ಸಂಸ್ಥೆಗಳ ಕ್ಷೇತ್ರ)

ಉತ್ತರ ನೀಡಬೇಕಾದ ದಿನಾಂಕ : 18-03-2021

ಉತ್ತರಿಸುವ ಸಚಿವರು: ಗೃಹ ಮತ್ತು ಕಾನೂನು ಸಂಸದೀಯ ವ್ಯವಹಾರಗಳು ಹಾಗೂ ಶಾಸನ ರಚನೆ ಸಚಿವರು

ವಿಷಯ : ಮಾದಕ ವಸ್ತುಗಳ ಸೇವನೆ ಪಿಡುಗಿನ ಬಗ್ಗೆ

(ಅ) ರಾಜ್ಯದಲ್ಲಿ ಮಾದಕ ಪದಾರ್ಥಗಳ ಪಿಡುಗು ಹೆಚ್ಚಾಗಿದ್ದು, ಇದಕ್ಕೆ ಸಮಾಜದ ಎಲ್ಲಾ ವರ್ಗದ ಜನರು ಬಲಿಯಾಗುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಈ ಮಾದಕ ವಸ್ತುಗಳಿಗೆ ಸಂಬಂಧಿಸಿದಂತೆ ರಾಜ್ಯದಲ್ಲಿ ಈವರೆಗೆ ದಾಖಲಾದ ಪ್ರಕರಣಗಳ ಸಂಖ್ಯೆ ಎಷ್ಟು;

(ಇ) ರಾಜ್ಯದಲ್ಲಿ ಇಲ್ಲಿಯವರೆಗೆ ಈ ಪ್ರಕರಣಗಳಿಗೆ ಸಂಬಂಧಿಸಿದಂತೆ ಎಷ್ಟು ಜನರನ್ನು ಬಂಧಿಸಲಾಗಿದೆ;

(ಈ) ಇಲ್ಲಿಯವರೆಗೆ ಈ ಪ್ರಕರಣಗಳಲ್ಲಿ ಎಷ್ಟು ಪ್ರಮಾಣದ ಮಾದಕ ಪದಾರ್ಥಗಳನ್ನು ವಶಪಡಿಸಿಕೊಳ್ಳಲಾಗಿದೆ; (ಮಾಹಿತಿ ಒದಗಿಸುವುದು)

(ಉ) ಈ ಡ್ರಗ್ ದಂಧೆಯಲ್ಲಿ ಸಮಾಜದ ದೊಡ್ಡ ದೊಡ್ಡ ಹಾಗೂ ಉನ್ನತ ಸ್ಥಾನಗಳಲ್ಲಿರುವ ವ್ಯಕ್ತಿಗಳು ಭಾಗಿಯಾಗಿರುವರೆಂದು ವರದಿಯಾಗಿರುವುದು ನಿಜವೇ; ಆಗಿದ್ದಲ್ಲಿ, ಇದರ ಬಗ್ಗೆ ಸರ್ಕಾರದ ಕ್ರಮಗಳೇನು?